ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೆರಡನೆಯ ಅಧಿವೇಶನ

ಸೋಮವಾರ, ದಿನಾಂಕ : 07 ನೇ ಡಿಸೆಂಬರ್, 2020

ದೈಹಿಕ ಶಿಕ್ಷಕರ ಹುದ್ದೆಗಳ ಸೃಜನೆ ಬಗ್ಗೆ

ಶ್ರೀ ಮರಿತಿಬ್ಬೇಗೌಡ(ಶಿಕ್ಷಕರ ಕ್ಷೇತ್ರ) –

35 (48) ಮಾನ್ಯ ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಹಾಗೂ ಸಕಾಲ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ –

(ಅ) ಸರ್ಕಾರಿ/ಅನುದಾನಿತ ಹಿರಿಯ ಪ್ರಾಥಮಿಕ ಮತ್ತು ಪ್ರೌಢಶಾಲೆಗಳಲ್ಲಿ ದೈಹಿಕ ಶಿಕ್ಷಕರ ಹುದ್ದೆಗಳನ್ನು ಸೃಜಿಸಲು ಇರುವ ಮಾನದಂಡಗಳೇನು; (ಪ್ರತ್ಯೇಕವಾಗಿ ವಿವರಗಳನ್ನು ಒದಗಿಸುವುದು)

(ಆ) ಸರ್ಕಾರಿ ಹಿರಿಯ ಪ್ರಾಥಮಿಕ ಮತ್ತು ಪ್ರೌಢಶಾಲೆಗಳಲ್ಲಿ ಖಾಲಿ ಇರುವ ದೈಹಿಕ ಶಿಕ್ಷಕರ ಹುದ್ದೆಗಳ ಸಂಖ್ಯೆ ಎಷ್ಟು; (ಪ್ರತ್ಯೇಕವಾಗಿ ವಿವರಗಳನ್ನು ಒದಗಿಸುವುದು)

(ಇ) ಸದರಿ ಖಾಲಿ ಇರುವ ಹುದ್ದೆಗಳನ್ನು ದೀರ್ಘ ಕಾಲದಿಂದ ಭರ್ತಿ ಮಾಡದಿರಲು ಕಾರಣಗಳೇನು;

(ಈ) ಸದರಿ ಹುದ್ದೆಗಳನ್ನು ಯಾವ ಕಾಲಮಿತಿಯೊಳಗೆ ಭರ್ತಿ ಮಾಡಲಾಗುವುದು?